ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತನೆಯ ಅಧಿವೇಶನ
ಬುಧವಾರ, ದಿನಾಂಕ : 11 ನೇ ಮಾರ್ಚ್, 2020

ಕ್ರೈಸ್ (KREIS) ಅಧೀನದಲ್ಲಿ ನಡೆಯುತ್ತಿರುವ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡ ವಸತಿ ಶಾಲೆಗಳ ಕುರಿತು

ಶ್ರೀ ನಿರಾಣಿ ಹನುಮಂತ್ ರುದ್ರಪ್ಪ (ಪದವೀಧರರ ಕ್ಷೇತ್ರ) :-

614 (810) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಮತ್ತು ಸಮಾಜ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ (ಕ್ರೈಸ್) ವತಿಯಿಂದ ನಡೆಯುತ್ತಿರುವ ವಸತಿ ಶಾಲೆಯಲ್ಲಿ ಕಾರ್ಯ ನಿರ್ವಹಿಸುತ್ತಿರುವ ಬೋಧಕ ಮತ್ತು ಬೋಧಕೇತರ ಸಿಬ್ಬಂದಿಗಳ ಸಮಸ್ಯೆಗಳು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಕುಮಾರನಾಯಕ ವರದಿಯಂತೆ ಸದರಿ ನೌಕರರುಗಳಿಗೆ ಸೌಲಭ್ಯಗಳನ್ನು ಕಲ್ಪಿಸುವಲ್ಲಿ ಸರ್ಕಾರ ವಿಳಂಬ ನೀತಿ ಅನುಸರಿಸುತ್ತಿರುವುದಕ್ಕೆ ಕಾರಣಗಳೇನು ;

(ಇ) ಕ್ರೈಸ್ ಅಧೀನದಲ್ಲಿ ನಡೆಯುತ್ತಿದ್ದ ಅಲ್ಪಸಂಖ್ಯಾತ ವಸತಿ ಶಾಲೆಗಳನ್ನು ಅಲ್ಪಸಂಖ್ಯಾತರ ಕಲ್ಯಾಣ ಇಲಾಖೆಯಲ್ಲಿ ವಿಲೀನಗೊಳಿಸಿದಂತೆ ಪರಿಶಿಷ್ಟ ಪಂಗಡಗಳ ಮೊರಾರ್ಜಿ ದೇಸಾಯಿ/ರಾಣಿಚನ್ನಮ್ಮ ವಸತಿ ಶಾಲೆಗಳನ್ನು ಸಮಾಜ ಕಲ್ಯಾಣ ಇಲಾಖೆಗೆ ವಿಲೀನಗೊಳಿಸಿ, ಸದರಿ ನೌಕರರುಗಳಿಗೆ ಸೌಲಭ್ಯಗಳನ್ನು ಒದಗಿಸಲು ಸರ್ಕಾರ ವಿಳಂಬ ಮಾಡುತ್ತಿರುವುದಕ್ಕೆ ಕಾರಣಗಳೇನು ;

(ಈ) ಸದರಿ ಶಾಲೆಗಳನ್ನು ಸಮಾಜ ಕಲ್ಯಾಣ ಇಲಾಖೆಯಲ್ಲಿ ವಿಲೀನಗೊಳಿಸಿ, ಇತರೇ ಇಲಾಖೆಯ ಸರ್ಕಾರಿ ನೌಕರರಿಗೆ ಮತ್ತು ಶಿಕ್ಷಕರಿಗೆ ಇರುವ ಸೌಲಭ್ಯಗಳನ್ನು ಸದರಿ ನೌಕರರುಗಳಿಗೆ ಕಲ್ಪಿಸಲು ಇನ್ನಾದರೂ ಸರ್ಕಾರ ಮುಂದಾಗುವುದೇ ; ಯಾವ ಕಾಲಮಿತಿಯಲ್ಲಿ ಸದರಿ ಪ್ರಕ್ರಿಯೆಯನ್ನು ಪೂರ್ಣಗೊಳಿಸಲಾಗುವುದು ?